ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**
ನೂರ ನಲವತ್ತೊಂದನೆಯ ಅಧಿವೇಶನ
ಮಂಗಳವಾರ, ದಿನಾಂಕ: 29ನೇ ಸೆಪ್ಟಂಬರ್, 2020

ನಗರದಲ್ಲಿ ವಸತಿ ರಹಿತರ ಸಮಸ್ಯೆ ಕುರಿತು

ಶ್ರೀ ಎನ್. ರವಿಕುಮಾರ್ (ವಿಧಾನ ಸಭೆಯಿಂದ ಚುನಾಯಿತರಾದವರು) :-

1004(1041) ಮಾನ್ಯ ನಗರಾಭಿವೃದ್ಧಿ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ನಗರದಲ್ಲಿ ವಸತಿ ರಹಿತರಿಗೆ ವಸತಿ ನೀಡಲು ಇರುವ ಯೋಜನೆಗಳು ಯಾವುವು ; ಈ ಯೋಜನೆಗಳ ಅನ್ವಯ ಕಳೆದ 5 ವರ್ಷಗಳಲ್ಲಿ ಎಷ್ಟು ವಸತಿ ರಹಿತರಿಗೆ ವಸತಿ ಸೌಲಭ್ಯವನ್ನು ಒದಗಿಸಲಾಗಿದೆ ; (ಯೋಜನೆವಾರು ವಿವರ ನೀಡುವುದು)

(ಆ) ಕರ್ನಾಟಕ ನಗರ ನೀರು ಸರಬರಾಜು ಯೋಜನೆಯಡಿ ಕಳೆದ ಎರಡು ವರ್ಷಗಳಲ್ಲಿ ಎಷ್ಟು ನಗರಗಳಲ್ಲಿ ಕುಡಿಯುವ ನೀರಿನ ಯೋಜನೆಯನ್ನು ಕೈಗೆತ್ತಿಕೊಳ್ಳಲಾಗಿದೆ ; (ಜಿಲ್ಲಾವಾರು ವಿವರ ನೀಡುವುದು)

(ಇ) ಕರ್ನಾಟಕ ನಗರ ಮೂಲ ಸೌಕರ್ಯ ಯೋಜನೆಯ ಅನ್ವಯ ರಾಜ್ಯದ ಎಷ್ಟು ನಗರಗಳಲ್ಲಿ ತ್ಯಾಜ್ಯ ಸಂಗ್ರಹಣಾ ವ್ಯವಸ್ಥೆಯನ್ನು ಉನ್ನತೀಕರಿಸಲಾಗಿದೆ ; ಇದಕ್ಕೆ ಎಷ್ಟು ವೆಚ್ಚ ಮಾಡಲಾಗಿದೆ ? (ಜಿಲ್ಲಾವಾರು ಮಾಹಿತಿ ನೀಡುವುದು)